ಸದನದಲ್ಲಿ ಉತ್ತರಿಸುವ ಪ್ರಶ್ನೆ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಗುರುವಾರ, ದಿನಾಂಕ: 18ನೇ ಜುಲೈ, 2019

ಸಣ್ಣ ಕೈಗಾರಿಕೆಗಳ ಬಗ್ಗೆ

ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

52 (529) ಸಣ್ಣ ಕೈಗಾರಿಕೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಕಳೆದ ಮೂರು ವರ್ಷಗಳಲ್ಲಿ ರಾಜ್ಯದಲ್ಲಿ ಎಷ್ಟು ಸಣ್ಣ ಕೈಗಾರಿಕೆಗಳನ್ನು ತೆರೆಯಲಾಗಿದೆ ; ಕಳೆದ ಮೂರು ವರ್ಷಗಳಲ್ಲಿ ಎಷ್ಟು ನಿವೇಶನಗಳನ್ನು ಹಂಚಿಕೆ ಮಾಡಿರುತ್ತದೆ ;

(ಆ) ಕರ್ನಾಟಕ ಸಣ್ಣ ಕೈಗಾರಿಕೆ ಅಭಿವೃದ್ಧಿ ನಿಗಮದ ಮೂಲಕ ಕಳೆದ ಮೂರು ವರ್ಷಗಳಲ್ಲಿ ಶಿವಮೊಗ್ಗ ಮತ್ತು ದಾವಣಗೆರೆ ಜಿಲ್ಲೆಯ ಹೊನ್ನಾಳಿ ಮತ್ತು ಚನ್ನಗಿರಿ ತಾಲ್ಲೂಕುಗಳಲ್ಲಿ ಎಷ್ಟು ನಿವೇಶನಗಳನ್ನು ಹಂಚಿಕೆ ಮಾಡಲಾಗಿದೆ; (ವಿವರ ನೀಡುವುದು)

(ಇ) ಶಿವಮೊಗ್ಗ ಮತ್ತು ದಾವಣಗೆರೆ ಜಿಲ್ಲೆಯ ಹೊನ್ನಾಳಿ ಮತ್ತು ಚನ್ನಗಿರಿ ತಾಲ್ಲೂಕುಗಳಲ್ಲಿ ಸಣ್ಣ ಕೈಗಾರಿಕಾ ಇಲಾಖೆ ಸಣ್ಣ ಕೈಗಾರಿಕೆ ಅಭಿವೃದ್ಧಿಗೆ ಯಾವುದಾದರೂ ಯೋಜನೆಯನ್ನು ಕೈಗೊಂಡಿದೆಯೇ ; ಇಲ್ಲದೇ ಹೋದಲ್ಲಿ ಯೋಜನೆಯನ್ನು ಕೈಗೊಳ್ಳುವ ಪ್ರಸ್ತಾಪ ಸರ್ಕಾರದ ಮುಂದಿದೆಯೇ ; ಈಗಾಗಲೇ ಸ್ಥಾಪಿಸಲಾಗಿರುವ ಸಣ್ಣ ಕೈಗಾರಿಕೆಗಳಿಗೆ ಸರ್ಕಾರದಿಂದ ಸಹಾಯಧನ ನೀಡಲಾಗಿದೆಯೇ ? (ವಿವರವನ್ನು ನೀಡುವುದು)